# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| 1 | ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 802 |
| 2 | ಸದಸ್ಯರ ಹೆಸರು | ಶ್ರೀ ಎಸ್.ರವಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) |
| 3 | ಉತ್ತರಿಸಬೇಕಾದ ದಿನಾಂಕ | 11.03.2020 |
| 4 | ಉತ್ತರಿಸುವ ಸಚಿವರು | ಕಂದಾಯ ಸಚಿವರು |

| ಕ್ರಮ ಸಂಖ್ಯೆ | ಪ್ರಶ್ನೆ | ಉತ್ತರ |
|---|---|---|
| ಅ | ರಾಮನಗರ ಜಿಲ್ಲೆಯಲ್ಲಿ ಹಿಂದಿನ ಸರ್ಕಾರದ ಅವಧಿಯಲ್ಲಿ ಹಾರೋಹಳ್ಳಿಯನ್ನು ತಾಲ್ಲೂಕು ಕೇಂದ್ರವೆಂದು ಘೋಷಣೆ ಮಾಡಿ ಮಂಜೂರಾದ ತಾಲ್ಲೂಕು ಕೇಂದ್ರದ ಬಗ್ಗೆ ಯಾವ ಕ್ರಮಗಳನ್ನು ಕೈಗೊಳ್ಳಲಾಗಿದೆ; | 2019-20ನೇ ಸಾಲಿನ ಆಯವ್ಯಯ ಭಾಷಣದಲ್ಲಿ ಘೋಷಿಸಲಾದಂತೆ ಸರ್ಕಾರದ ಆದೇಶ ಸಂಖ್ಯೆ: ಕಂಇ 25 ಭೂದಾಮ 2019, ದಿನಾಂಕ:28-02-2019ರಲ್ಲಿ ರಾಮನಗರ ಜಿಲ್ಲೆಯ ಹಾರೋಹಳ್ಳಿ ಸೇರಿದಂತೆ 12 ಹೊಸ ತಾಲ್ಲೂಕುಗಳನ್ನು ರಚಿಸಲು ತಾತ್ವಿಕವಾಗಿ ಆಡಳಿತಾತ್ಮಕ ಅನುಮೋದನೆ ನೀಡಲಾಗಿದೆ.<br><br>ಸದರಿ ಆದೇಶದಲ್ಲಿ ಕಂದಾಯ ಇಲಾಖೆ ವತಿಯಿಂದ ಹೊಸ ತಾಲ್ಲೂಕು ಕಚೇರಿಯನ್ನು ತೆರೆಯಲು ಮತ್ತು ಇತರೆ ಇಲಾಖೆಗಳ ತಾಲ್ಲೂಕು ಮಟ್ಟದ ಕಚೇರಿಗಳನ್ನು ಆರ್ಥಿಕ ಇಲಾಖೆಯ ಸಹಮತಿಯೊಂದಿಗೆ ಹಂತ ಹಂತವಾಗಿ ತೆರೆಯಲು ಸಹ ಅನುಮತಿ ನೀಡಲಾಗಿದೆ. ಈ ನೂತನ ತಾಲ್ಲೂಕಿಗೆ ಸಂಬಂಧಿಸಿದಂತೆ ಅಂತಿಮ ಅಧಿಸೂಚನೆ ಹೊರಡಿಸಿದ ನಂತರ ಸಂಬಂಧಪಟ್ಟ ಇಲಾಖೆಗಳ ವತಿಯಿಂದ ತಾಲ್ಲೂಕು ಮಟ್ಟದ ಕಚೇರಿಗಳನ್ನು ಪ್ರಾರಂಭಿಸಬೇಕಾಗಿದೆ. |
| ಆ | ಇದು ಯಾವ ಹಂತದಲ್ಲಿದೆ? (ವಿವರ ನೀಡುವುದು) | ನೂತನ ಹಾರೋಹಳ್ಳಿ ತಾಲ್ಲೂಕಿನ ವ್ಯಾಪ್ತಿಗೆ ಯಾವ ಯಾವ ಗ್ರಾಮಗಳನ್ನು ಸೇರಿಸಬೇಕು ಎಂಬ ಕುರಿತು ಹಿಂದಿನ ತಾಲ್ಲೂಕು ಪುನರ್ ರಚನೆ ಸಮಿತಿಯ ಶಿಫಾರಸ್ಸು ಹಾಗೂ ಇತ್ತೀಚಿನ ಬೆಳವಣಿಗೆಗಳ ಹಿನ್ನೆಲೆಯಲ್ಲಿ ಜಿಲ್ಲಾ ಉಸ್ತುವಾರಿ ಸಚಿವರು ಹಾಗೂ ಸಂಬಂಧಪಟ್ಟ ಶಾಸಕರು ಮತ್ತು ಸ್ಥಳೀಯ ಜನಪ್ರತಿನಿಧಿಗಳೊಂದಿಗೆ ಸಮಾಲೋಚನೆ ಸಭೆ ನಡೆಸಿ ಜಿಲ್ಲಾಧಿಕಾರಿಗಳಿಂದ ಪ್ರಸ್ತಾವನೆ ಸ್ವೀಕೃತವಾಗಿದ್ದು, ಪ್ರಾಥಮಿಕ ಅಧಿಸೂಚನೆ ಹೊರಡಿಸುವ ಪ್ರಕ್ರಿಯೆ ಚಾಲನೆಯಲ್ಲಿದೆ. |

**ಸಂಖ್ಯೆ: ಕಂಇ 49 ಎಸ್‌ಎಸ್‌ಸಿ 2020**

(ಆರ್. ಅಶೋಕ)
ಕಂದಾಯ ಸಚಿವರು